

# ಕರ್ನಾಟಕ ವಿಧಾನ ಪರಿಷತ್ತು

| | | | |
|---|---|---|---|
| 1. | ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | : | 418 (412) |
| 2. | ಸದಸ್ಯರ ಹೆಸರು | : | ಶ್ರೀ ಕಾಂತರಾಜ್ |
| 3. | ಉತ್ತರಿಸಬೇಕಾದ ದಿನಾಂಕ | : | 09.03.2020 |
| 4. | ಉತ್ತರಿಸಬೇಕಾದ ಸಚಿವರು | : | ವೈದ್ಯಕೀಯ ಶಿಕ್ಷಣ ಸಚಿವರು |

| | ಪ್ರಶ್ನೆಗಳು | ಉತ್ತರಗಳು |
|---|---|---|
| ಅ) | ರಾಜ್ಯದಲ್ಲಿರುವ ಸರ್ಕಾರಿ ವೈದ್ಯಕೀಯ ಕಾಲೇಜುಗಳ ಸಂಖ್ಯೆ ಎಷ್ಟು; | ರಾಜ್ಯದಲ್ಲಿ ಕೆಳಕಂಡಂತೆ ಒಟ್ಟು 17 ವೈದ್ಯಕೀಯ ಕಾಲೇಜುಗಳು ಕಾರ್ಯನಿರ್ವಹಿಸುತ್ತಿವೆ. ಜಿಲ್ಲಾವಾರು ವಿವರಗಳನ್ನು ಅನುಬಂಧದಲ್ಲಿ ಲಗತ್ತಿಸಿದೆ. |
| ಆ) | ಈ ಕಾಲೇಜುಗಳನ್ನು ಜಿಲಾವಾರು ತೆರೆಯಲಾಗಿದೆಯೇ, ಹಾಗಿದ್ದಲ್ಲಿ, ಜಿಲ್ಲಾವಾರು ಮಾಹಿತಿ ನೀಡುವುದು; | |
| ಇ) | ತುಮಕೂರು ಜಿಲ್ಲೆಯಲ್ಲಿ ಸರ್ಕಾರಿ ಕಾಲೇಜು ಇಲ್ಲದಿರುವ ಬಗ್ಗೆ ಸರ್ಕಾರದ ಗಮನಕ್ಕೆ ಬಂದಿದೆಯೇ; | ಹೌದು. |
| ಈ) | ಬಂದಿದ್ದಲ್ಲಿ, ತುಮಕೂರು ಜಿಲ್ಲೆಯಲ್ಲಿ ಇದುವರೆವಿಗೂ ಸರ್ಕಾರಿ ವೈದ್ಯಕೀಯ ಕಾಲೇಜನ್ನು ತೆರೆಯಲಾಗಿಲ್ಲದಿರುವುದಕ್ಕೆ ಕಾರಣಗಳೇನು; (ವಿವರ ನೀಡುವುದು) | 2014-15 ನೇ ಸಾಲಿನ ಆಯವ್ಯಯ ಘೋಷಣೆಯಲ್ಲಿ ತುಮಕೂರಿನಲ್ಲಿ ಹೊಸ ವೈದ್ಯಕೀಯ ಕಾಲೇಜನ್ನು ಪ್ರಾರಂಭಿಸಲು ಪ್ರಸ್ತಾಪಿಸಲಾಗಿದ್ದು, ಸರ್ಕಾರದ ಆದೇಶ ಸಂಖ್ಯೆ:ಆಕುಕ 172 ಎಂಪಿಎಸ್ 2014, ದಿನಾಂಕ 12.06.2014 ರಲ್ಲಿ ಸದರಿ ವೈದ್ಯಕೀಯ ಕಾಲೇಜಿನ ಸ್ಥಾಪನೆಗೆ ಮಂಜೂರಾತಿ ನೀಡಲಾಗಿದೆ.<br><br>ಆದರೆ, ಆರ್ಥಿಕ ಮಿತವ್ಯಯದ ಕಾರಣದಿಂದಾಗಿ ಆಯವ್ಯಯ ಘೋಷಣೆಯಂತೆ ಸದರಿ ಆರ್ಥಿಕ ವರ್ಷದಲ್ಲಿ ವೈದ್ಯಕೀಯ ಕಾಲೇಜನ್ನು ಪ್ರಾರಂಭಿಸಲಾಗಿರುವುದಿಲ್ಲ. ಮುಂದುವರಿದು ಯಾವುದೇ ಕ್ರಮವನ್ನು ವಹಿಸಲಾಗಿರುವುದಿಲ್ಲ. |

| | | |
|---|---|---|
| ಉ) | ಈ ಹಿಂದಿನ ಸರ್ಕಾರಗಳ ಅವಧಿಯಲ್ಲಿ ತುಮಕೂರಿನಲ್ಲಿ ಸರ್ಕಾರಿ ಕಾಲೇಜು ತೆರೆದು ಸೂಪರ್ ಸ್ಪೆಷಾಲಿಟಿ ಆಸ್ಪತ್ರೆಯನ್ನು ತೆರೆಯಲಾಗುವುದೆಂದು ಸಚಿವ ಸಂಪುಟದಲ್ಲಿ ತೀರ್ಮಾನ ತೆಗೆದುಕೊಂಡಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | 2019-20 ನೇ ಸಾಲಿನ ಆಯವ್ಯಯ ಘೋಷಣೆಯನ್ವಯ ತುಮಕೂರಿನ ಜಿಲ್ಲಾ ಆಸ್ಪತ್ರೆಯ ಆವರಣದಲ್ಲಿ ರೂ.60.00 ಕೋಟಿಗಳ ವೆಚ್ಚದಲ್ಲಿ ಕ್ಯಾನ್ಸರ್ ಚಿಕಿತ್ಸಾ ಕೇಂದ್ರವನ್ನು ಸ್ಥಾಪಿಸಲು ಮಂಜೂರಾತಿ ನೀಡಲಾಗಿದೆ.<br><br>2019-20 ನೇ ಸಾಲಿನಲ್ಲಿ ಕೇಂದ್ರ ಸರ್ಕಾರದ ಯೋಜನೆಯನ್ವಯ ಸರ್ಕಾರಿ / ಖಾಸಗಿ ವೈದ್ಯಕೀಯ ಕಾಲೇಜುಗಳಿರದ ಜಿಲ್ಲೆಗಳಲ್ಲಿ ಸರ್ಕಾರಿ ವೈದ್ಯಕೀಯ ಕಾಲೇಜುಗಳನ್ನು ಪ್ರಾರಂಭಿಸಲು ಅವಕಾಶವಿದ್ದು, ಈ ಯೋಜನೆ ಅಡಿ ಕೇಂದ್ರ ಹಾಗೂ ರಾಜ್ಯ ಸರ್ಕಾರದ ಪಾಲು ಶೇ.60:40 ರ ಅನುಪಾತದಲ್ಲಿ ಒಟ್ಟು ರೂ.325.00 ಕೋಟಿಗಳ ಅನುದಾನ ಲಭ್ಯವಾಗಲಿದೆ. |
| ಊ) | ಬಂದಿದ್ದಲ್ಲಿ, ಸರ್ಕಾರ ಯಾವ ನಿಲುವು ತೆಗೆದುಕೊಂಡಿದೆ; ಸರ್ಕಾರ ಇನ್ನಾದರೂ ಘೋಷಣೆ ಮಾಡಿದಂತೆ ತುಮಕೂರಿಗೆ ಸರ್ಕಾರಿ ವೈದ್ಯಕೀಯ ಕಾಲೇಜು ಮತ್ತು ಸೂಪರ್ ಸ್ಪೆಷಾಲಿಟಿ ಆಸ್ಪತ್ರೆಯನ್ನು ತೆರೆಯಲು ಕ್ರಮ ತೆಗೆದುಕೊಳ್ಳುವುದೇ? (ಸ್ಪಷ್ಟ ಉತ್ತರ ನೀಡುವುದು) | ತುಮಕೂರಿನಲ್ಲಿ ಈಗಾಗಲೇ ಖಾಸಗಿ ವೈದ್ಯಕೀಯ ಕಾಲೇಜುಗಳು ಕಾರ್ಯ ನಿರ್ವಹಿಸುತ್ತಿರುವುದರಿಂದ, ಈ ಜಿಲ್ಲೆಯಲ್ಲಿ ವೈದ್ಯಕೀಯ ಕಾಲೇಜುಗಳನ್ನು ಸ್ಥಾಪಿಸುವುದು ಕೇಂದ್ರ ಸರ್ಕಾರದ ಯೋಜನೆಯ ವ್ಯಾಪ್ತಿಗೆ ಒಳಪಡುವುದಿಲ್ಲ.<br><br>ರಾಜ್ಯ ಸರ್ಕಾರದ ವತಿಯಿಂದ ಹೊಸ ಸರ್ಕಾರಿ ವೈದ್ಯಕೀಯ ಕಾಲೇಜನ್ನು ಸ್ಥಾಪಿಸಲು ಅಂದಾಜು ರೂ.525.00 ಕೋಟಿಗಳ ಅನಾವರ್ತಕ ವೆಚ್ಚ ಹಾಗೂ ರೂ.42.75 ಕೋಟಿಗಳ ಆವರ್ತಕ ವೆಚ್ಚದ ಅವಶ್ಯಕತೆ ಇರುತ್ತದೆ.<br><br>ಪ್ರಸ್ತುತ ಅನುದಾನದ ಕೊರತೆಯ ಹಿನ್ನೆಲೆಯಲ್ಲಿ, ರಾಜ್ಯ ಸರ್ಕಾರದ ವತಿಯಿಂದ ತುಮಕೂರಿನಲ್ಲಿ ಹೊಸ ವೈದ್ಯಕೀಯ ಕಾಲೇಜು ಹಾಗೂ ಸೂಪರ್ ಸ್ಪೆಷಾಲಿಟಿ ಆಸ್ಪತ್ರೆಯನ್ನು ತೆರೆಯುವ ಯಾವುದೇ ಪ್ರಸ್ತಾವನೆಯು ಸರ್ಕಾರದ ಪರಿಶೀಲನೆಯಲ್ಲಿರುವುದಿಲ್ಲ. |

**ಸಂಖ್ಯೆ:ಎಂಇಡಿ 159 ಎಂಎಂಸಿ 2020**

(ಡಾ:ಕೆ.ಸುಧಾಕರ್)

ವೈದ್ಯಕೀಯ ಶಿಕ್ಷಣ ಸಚಿವರು

## ಅನುಬಂಧ

ಹಾಲಿ ಕಾರ್ಯನಿರ್ವಹಿಸುತ್ತಿರುವ ವೈದ್ಯಕೀಯ ಕಾಲೇಜುಗಳ ಜಿಲ್ಲಾವಾರು ಮಾಹಿತಿ

1) ಬೆಂಗಳೂರು ವೈದ್ಯಕೀಯ ಕಾಲೇಜು ಮತ್ತು ಸಂಶೋಧನಾ ಸಂಸ್ಥೆ, ಬೆಂಗಳೂರು.
2) ಬೌರಿಂಗ್ ಮತ್ತು ಲೇಡಿ ಕರ್ಜನ್ ವೈದ್ಯಕೀಯ ಮಹಾವಿದ್ಯಾಲಯ ಮತ್ತು ಸಂಶೋಧನಾ ಸಂಸ್ಥೆ, ಬೆಂಗಳೂರು.
3) ಮೈಸೂರು ವೈದ್ಯಕೀಯ ಕಾಲೇಜು ಮತ್ತು ಸಂಶೋಧನಾ ಸಂಸ್ಥೆ, ಮೈಸೂರು.
4) ಕರ್ನಾಟಕ ವೈದ್ಯಕೀಯ ವಿಜ್ಞಾನಗಳ ಸಂಸ್ಥೆ (ಕಿಮ್ಸ್), ಹುಬ್ಬಳ್ಳಿ.
5) ವಿಜಯನಗರ ವೈದ್ಯಕೀಯ ವಿಜ್ಞಾನಗಳ ಸಂಸ್ಥೆ, ಬಳ್ಳಾರಿ.
6) ಮಂಡ್ಯ ವೈದ್ಯಕೀಯ ವಿಜ್ಞಾನಗಳ ಸಂಸ್ಥೆ, ಮಂಡ್ಯ.
7) ಹಾಸನ ವೈದ್ಯಕೀಯ ವಿಜ್ಞಾನಗಳ ಸಂಸ್ಥೆ, ಹಾಸನ.
8) ಶಿವಮೊಗ್ಗ ವೈದ್ಯಕೀಯ ವಿಜ್ಞಾನಗಳ ಸಂಸ್ಥೆ, ಶಿವಮೊಗ್ಗ.
9) ಬೀದರ್ ವೈದ್ಯಕೀಯ ವಿಜ್ಞಾನಗಳ ಸಂಸ್ಥೆ, ಬೀದರ್.
10) ರಾಯಚೂರು ವೈದ್ಯಕೀಯ ವಿಜ್ಞಾನಗಳ ಸಂಸ್ಥೆ, ರಾಯಚೂರು.
11) ಬೆಳಗಾವಿ ವೈದ್ಯಕೀಯ ವಿಜ್ಞಾನಗಳ ಸಂಸ್ಥೆ, ಬೆಳಗಾವಿ.
12) ಚಾಮರಾಜನಗರ ವೈದ್ಯಕೀಯ ವಿಜ್ಞಾನಗಳ ಸಂಸ್ಥೆ, ಚಾಮರಾಜನಗರ.
13) ಕೊಡಗು ವೈದ್ಯಕೀಯ ವಿಜ್ಞಾನಗಳ ಸಂಸ್ಥೆ, ಮಡಿಕೇರಿ.
14) ಕೊಪ್ಪಳ ವೈದ್ಯಕೀಯ ವಿಜ್ಞಾನಗಳ ಸಂಸ್ಥೆ, ಕೊಪ್ಪಳ.
15) ಕಾರವಾರ ವೈದ್ಯಕೀಯ ವಿಜ್ಞಾನಗಳ ಸಂಸ್ಥೆ, ಕಾರವಾರ.
16) ಗದಗ ವೈದ್ಯಕೀಯ ವಿಜ್ಞಾನಗಳ ಸಂಸ್ಥೆ, ಗದಗ.
17) ಗುಲ್ಬರ್ಗಾ ವೈದ್ಯಕೀಯ ವಿಜ್ಞಾನಗಳ ಸಂಸ್ಥೆ, ಕಲಬುರಗಿ.